

# ಕರ್ನಾಟಕ ವಿಧಾನ ಪರಿಷತ್ತು

## ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

## **ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 17-03-2021 ಪ್ರಶ್ನೆ ಸಂಖ್ಯೆ : 207 (1227)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀಮತಿ ಎಸ್. ವೀಣಾ ಅಚ್ಚಯ್ಯ (ವಿಧಾನಸಭೆಯಿಂದ ಚುನಾಯಿತರಾದವರು)

ಉತ್ತರ ನೀಡಬೇಕಾದ ದಿನಾಂಕ : 17-03-2021

ಉತ್ತರಿಸುವ ಸಚಿವರು : ಕಂದಾಯ ಸಚಿವರು

ವಿಷಯ : ಕೊಡಗು ಜಿಲ್ಲೆಯ ಮಲೆತಿರಿಕೆ ಬೆಟ್ಟ, ನೆಹರು ನಗರ ಮತ್ತು ಅರಸು ನಗರದ ನಿವಾಸಿಗಳನ್ನು ಸುರಕ್ಷಿತ ಸ್ಥಳಕ್ಕೆ ಸ್ಥಳಾಂತರಿಸುವ ಕುರಿತು

(ಅ) ಕೊಡಗು ಜಿಲ್ಲೆಯ ವಿರಾಜಪೇಟೆ ಪಟ್ಟಣ ಪಂಚಾಯತಿ ವ್ಯಾಪ್ತಿಯ ಮಲೆತಿರಿಕೆ ಬೆಟ್ಟ, ನೆಹರು ನಗರ ಮತ್ತು ಅರಸು ನಗರದ ಸಮೀಪದಲ್ಲಿ 2018ರಲ್ಲಿ 200 ಮೀಟರ್ ಆಳದ ಬಿರುಕು ಕಾಣಿಸಿಕೊಂಡ ಕಾರಣದಿಂದಾಗಿ ಸದರಿ ಪ್ರದೇಶವು ಅಪಾಯಕಾರಿಯಾಗಿದ್ದು, ಜನವಸತಿಗೆ ಸುರಕ್ಷಿತವಲ್ಲ ಎಂಬ ವರದಿಯ ಹಿನ್ನೆಲೆಯಲ್ಲಿ ಸ್ಥಳೀಯ ನಿವಾಸಿಗಳು ಭಯದ ವಾತಾವರಣದಲ್ಲಿ ಕಳೆದ ಮೂರು ವರ್ಷಗಳಿಂದ ಬದುಕುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಆ) ಬಂದಿದ್ದಲ್ಲಿ, ಸುರಕ್ಷಿತವಲ್ಲದ ಈ ಪ್ರದೇಶದಲ್ಲಿ ವಾಸಿಸುತ್ತಿರುವ ನಿವಾಸಿಗಳನ್ನು ಸುರಕ್ಷಿತ ಪ್ರದೇಶಕ್ಕೆ ಶಾಶ್ವತವಾಗಿ ಸ್ಥಳಾಂತರ ಮಾಡಿ ಸೂಕ್ತ ಪರಿಹಾರ ಒದಗಿಸಲು ಸರ್ಕಾರ ಕಳೆದ ಮೂರು ವರ್ಷಗಳಿಂದ ಇಲ್ಲಿಯವರೆಗೂ ಕ್ರಮ ವಹಿಸದಿರಲು ಕಾರಣಗಳೇನು ;

(ಇ) ಅತಿಯಾದ ಮಳೆ ಬಂದಲ್ಲಿ ಮಡ್ ಫ್ಲೋ ಆಗುತ್ತಾ ಬೆಟ್ಟ ಜಾರಿ, ಜೀವ ಹಾನಿ ಸಂಭವಿಸುವ ಸಾಧ್ಯತೆ ಇರುವ ಸ್ಥಳದಲ್ಲಿ ವಾಸವಿರುವ ಸದರಿ ನಿವಾಸಿಗಳನ್ನು ಯಾವ ಕಾಲಮಿತಿಯೊಳಗೆ ಸುರಕ್ಷಿತ ಪ್ರದೇಶಕ್ಕೆ ಶಾಶ್ವತವಾಗಿ ಸ್ಥಳಾಂತರ ಮಾಡಿ ಸೂಕ್ತ ಪರಿಹಾರ ಒದಗಿಸಲಾಗುವುದು ?